ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಸೋಮವಾರ, ದಿನಾಂಕ : 07 ನೇ ಡಿಸೆಂಬರ್, 2020

ಶಿಕ್ಷಕರಿಗೆ ವಿಶೇಷ ಭತ್ಯೆ

ಶ್ರೀ ಎಸ್. ಎಲ್. ಭೋಜೇಗೌಡ(ಶಿಕ್ಷಕರ ಕ್ಷೇತ್ರ) –

15 (27) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ದಿನಾಂಕ:01.08.2008 ರ ನಂತರ ನೇರ ನೇಮಕಾತಿ ಹೊಂದಿದ ಸರ್ಕಾರಿ ಮತ್ತು ಅನುದಾನಿತ ಪ್ರೌಢ ಶಾಲಾ ಶಿಕ್ಷಕರ ಸಂಖ್ಯೆ ಹಾಗೂ ಅನುದಾನಿತ ಪದವಿ ಪೂರ್ವ ಕಾಲೇಜಗಳ ಉಪನ್ಯಾಸಕರ ಸಂಖ್ಯೆ ಎಷ್ಟು;

(ಆ) ಸದರಿ ಶಿಕ್ಷಕರು ಹಾಗೂ ಉಪನ್ಯಾಸಕರಿಗೆ ವಿಶೇಷ ಭತ್ಯೆಯು ಮಂಜೂರಾಗದೆ ತಾರತಮ್ಯವಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಇ) ಸದರಿ ಶಿಕ್ಷಕರು ಮತ್ತು ಉಪನ್ಯಾಸಕರಿಗೆ ಈಗಾಗಲೇ ಮಂಜೂರಾಗಿರುವ ವಿಶೇಷ ಭತ್ಯೆಯನ್ನು ವಸೂಲು ಮಾಡುವಂತೆ ಸರ್ಕಾರವು ಆದೇಶಿಸುವುದು ಸಮಂಜಸವೇ;

(ಈ) ಘನತೆವೆತ್ತ ನ್ಯಾಯಲಯ ಮತ್ತು ಕರ್ನಾಟಕ ಮೇಲ್ಮನವಿ ನ್ಯಾಯಮಂಡಳಿಯಿಂದ ದಿನಾಂಕ:01.08.2008 ರ ನಂತರ ನೇಮಕಾತಿಗೊಂಡ ಶಿಕ್ಷಕರು ಹಾಗೂ ಉಪನ್ಯಾಸಕರುಗಳಿಗೆ ವಿಶೇಷ ಭತ್ಯೆ ನೀಡುವುದು ಸಮಂಜಸವೆಂದು ಹೇಳಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಉ) ಹಾಗಿದ್ದಲ್ಲಿ, ಸರ್ಕಾರವು ಸದರಿ ಶಿಕ್ಷಕರು ಮತ್ತು ಉಪನ್ಯಾಸಕರಿಗೆ ಮಂಜೂರಾಗಿರುವ ವಿಶೇಷ ಭತ್ಯೆಯನ್ನು ಎಂದಿನಿಂದ ಮುಂದುವರೆಸಲಾಗುವುದು? (ಪೂರ್ಣ ಮಾಹಿತಿ ನೀಡುವುದು)